

# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 435(516) |
| ಮಾನ್ಯ ಸದಸ್ಯರ ಹೆಸರು | ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 16/09/2021 |
| ಉತ್ತರಿಸುವವರು | ಮಾನ್ಯ ಕಾರ್ಮಿಕ ಸಚಿವರು |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕಾರ್ಮಿಕರ ಕಲ್ಯಾಣಕ್ಕಾಗಿ ಸರ್ಕಾರವು ರೂಪಿಸಿರುವ ಕಾರ್ಯಕ್ರಮಗಳೇನು (ಮಾಹಿತಿ ನೀಡುವುದು) | ಕಾರ್ಮಿಕರ ಕಲ್ಯಾಣಕ್ಕಾಗಿ ಸರ್ಕಾರವು ರೂಪಿಸಿರುವ ಕಾರ್ಯಕ್ರಮಗಳ ಮಾಹಿತಿಯನ್ನು ಈ ಕೆಳಕಂಡಂತೆ ಒದಗಿಸಲಾಗಿದೆ.<br>**1. ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿ:-**<br>ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರಿಗೆ ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಯು 19 ವಿವಿಧ ರೀತಿಯ ಕಲ್ಯಾಣ ಮತ್ತು ಸಾಮಾಜಿಕ ಭದ್ರತಾ ಸೌಲಭ್ಯಗಳನ್ನು ರೂಪಿಸಲಾಗಿದೆ. ವಿವರವನ್ನು **ಅನುಬಂಧ-1**ರಲ್ಲಿ ಲಗತ್ತಿಸಿದೆ.<br>**2. ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿ:-**<br>ಅಸಂಘಟಿತ ಕಾರ್ಮಿಕರಿಗೆ ಸಾಮಾಜಿಕ ಭದ್ರತೆ ಒದಗಿಸಲು ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿಯು ಈ ಕೆಳಕಂಡ ಯೋಜನೆಗಳನ್ನು ಅನುಷ್ಠಾನಗೊಳಿಸುತ್ತಿದೆ.<br>(1) **ಕರ್ನಾಟಕ ರಾಜ್ಯ ಖಾಸಗಿ ವಾಣಿಜ್ಯ ಸಾರಿಗೆ ಕಾರ್ಮಿಕರ ಅಪಘಾತ ಪರಿಹಾರ ಯೋಜನೆ:-** ಖಾಸಗಿ ವಾಣಿಜ್ಯ ಸಾರಿಗೆ ವಾಹನ ಚಾಲಕರಿಗೆ ಸಂಬಂಧಪಟ್ಟಂತೆ ಯೋಜನೆಯಡಿ ಈ ಕೆಳಕಂಡ ಸೌಲಭ್ಯಗಳನ್ನು ನೀಡಲಾಗುತ್ತಿದೆ.<br>(ಅ) **ಅಪಘಾತ ಪರಿಹಾರ ಸೌಲಭ್ಯ** : ಯೋಜನೆಯಡಿ, ಅಪಘಾತದಿಂದಾದ ಮರಣ ಹೊಂದಿದ ಪ್ರಕರಣಗಳಲ್ಲಿ ರೂ. 5 ಲಕ್ಷ ಪರಿಹಾರ, ಸಂಪೂರ್ಣ ಶಾಶ್ವತ ದುರ್ಬಲತೆ ಹೊಂದಿದ ಪ್ರಕರಣಗಳಲ್ಲಿ ರೂ.2 ಲಕ್ಷದ ಪರಿಹಾರ ಮತ್ತು ಒಳರೋಗಿಯಾಗಿ ಚಿಕಿತ್ಸೆ ಪಡೆದಲ್ಲಿ ರೂ.1 ಲಕ್ಷದವರೆಗೂ ಚಿಕಿತ್ಸಾ ವೆಚ್ಚದ ಮರುಪಾವತಿ ನೀಡಲಾಗುತ್ತಿದೆ. |

| | | |
|---|---|---|
| | | (ಆ) **ಶೈಕ್ಷಣಿಕ ಧನ ಸಹಾಯ:** ಅಪಘಾತದ ಕಾರಣ ನಿಧನರಾದ ಅಥವಾ ಸಂಪೂರ್ಣ ಶಾಶ್ವತ ದುರ್ಬಲತೆ ಹೊಂದಿದ ಫಲಾನುಭವಿಗಳ ಇಬ್ಬರು ಮಕ್ಕಳಿಗೆ ಪದವಿ ಪೂರ್ವ ವ್ಯಾಸಂಗದವರೆಗೆ ವಾರ್ಷಿಕ ರೂ.10,000/-ಗಳ ಶೈಕ್ಷಣಿಕ ಸಹಾಯಧನ ನೀಡಲಾಗುತ್ತಿದೆ.<br><br>(ಇ) **ಅಪಘಾತ ಜೀವ ರಕ್ಷಕ ಕಾರ್ಯಕ್ರಮ:** ಈ ಕಾರ್ಯಕ್ರಮದಡಿ ಅಪಘಾತಕ್ಕೊಳಗಾದ ಗಾಯಾಳುಗಳನ್ನು ರಕ್ಷಿಸುವ ದೃಷ್ಟಿಯಿಂದ ಅಪಘಾತ ಜೀವರಕ್ಷಕರನ್ನಾಗಿಸುವ ಉದ್ದೇಶದಿಂದ ಚಾಲಕರಿಗೆ ಪ್ರಥಮ ಚಿಕಿತ್ಸಾ ತರಬೇತಿಯನ್ನು ನೀಡಲಾಗುತ್ತಿದ್ದು, ತರಬೇತಿ ಪಡೆದ ಚಾಲಕರಿಗೆ ಪ್ರಥಮ ಚಿಕಿತ್ಸಾ ಕಿಟ್ ಹಾಗೂ ಪ್ರಮಾಣ ಪತ್ರ ನೀಡಲಾಗುತ್ತಿದೆ.<br><br>(ಈ) **ಶ್ರಮ ಸಮ್ಮಾನ ಪ್ರಶಸ್ತಿ:** ಪ್ರತಿ ವರ್ಷ ಸರ್ಕಾರದ ಆದೇಶದಂತೆ, ಮಾರ್ಚ್ 01 ರಂದು ರಾಜ್ಯದ ಎಲ್ಲಾ ಜಿಲ್ಲಾ ಕೇಂದ್ರಗಳಲ್ಲಿ ಕಾರ್ಮಿಕ ಸಮ್ಮಾನ ದಿನಾಚರಣೆ ಆಚರಿಸಿ, ಉತ್ತಮ ಹಾಗೂ ಸುರಕ್ಷತಾ ಚಾಲನೆ ಮಾಡಿದ ತ್ರಿಚಕ್ರ ಹಾಗೂ ನಾಲ್ಕು ಚಕ್ರದ ವಾಹನ ಚಾಲಕರಿಗೆ ಪ್ರತಿ ಜಿಲ್ಲೆಗೆ ಪ್ರತ್ಯೇಕವಾಗಿ ಪ್ರಥಮ, ದ್ವಿತೀಯ ಹಾಗೂ ತೃತೀಯ ಪ್ರಶಸ್ತಿ ಮತ್ತು 8 ವಿಶೇಷ ಪುರಸ್ಕಾರ ಪ್ರಶಸ್ತಿಗಳು ಸೇರಿ ಒಟ್ಟು ರಾಜ್ಯಾದ್ಯಂತ 660 ಚಾಲಕರಿಗೆ "ಶ್ರಮ ಸಮ್ಮಾನ ಪ್ರಶಸ್ತಿ" ನೀಡಿ ಗೌರವಿಸಲಾಗುತ್ತಿದೆ.<br><br>(2) **ಅಂಬೇಡ್ಕರ್ ಕಾರ್ಮಿಕ ಸಹಾಯ ಹಸ್ತ ಯೋಜನೆ:-**<br>(ಅ) **"ಸ್ಮಾರ್ಟ್ ಕಾರ್ಡ್":** ಯೋಜನೆಯಡಿ ಅಸಂಘಟಿತ ವಲಯದ 11 ವರ್ಗಗಳಾದ "ಹಮಾಲರು, ಮನೆಗೆಲಸದವರು, ಚಿಂದಿ ಆಯುವವರು, ಟೈಲರ್ಸ್, ಮೆಕ್ಯಾನಿಕ್, ಅಗಸರು, ಅಕ್ಕಸಾಲಿಗರು, ಕಮ್ಮಾರರು, ಕುಂಬಾರರು, ಕ್ಷೌರಿಕರು ಹಾಗೂ ಭಟ್ಟಿ ಕಾರ್ಮಿಕ"ರನ್ನು ನೋಂದಾಯಿಸಿ ಸ್ಮಾರ್ಟ್ ಕಾರ್ಡ್ ವಿತರಿಸಲಾಗುತ್ತಿದೆ.<br><br>(ಆ) **ಶ್ರಮ ಸಮ್ಮಾನ ಪ್ರಶಸ್ತಿ:** ಪ್ರತಿ ವರ್ಷ, ಸರ್ಕಾರದ ಆದೇಶದಂತೆ, ಮಾರ್ಚ್ 01 ರಂದು ರಾಜ್ಯದ ಎಲ್ಲಾ ಜಿಲ್ಲಾ ಕೇಂದ್ರಗಳಲ್ಲಿ ಕಾರ್ಮಿಕ ಸಮ್ಮಾನ ದಿನಾಚರಣೆ ಆಚರಿಸಿ, 11 ಅಸಂಘಟಿತ ವಲಯಗಳಾದ "ಹಮಾಲರು, ಮನೆಗೆಲಸದವರು, ಚಿಂದಿ ಆಯುವವರು, ಟೈಲರ್ಸ್, ಮೆಕ್ಯಾನಿಕ್, ಅಗಸರು, ಅಕ್ಕಸಾಲಿಗರು, ಕಮ್ಮಾರರು, ಕುಂಬಾರರು, ಕ್ಷೌರಿಕರು ಹಾಗೂ ಭಟ್ಟಿ ಕಾರ್ಮಿಕ" ವಲಯಗಳಲ್ಲಿ ವಿಶೇಷ ಸಾಧನೆ ಮಾಡಿದ ಕಾರ್ಮಿಕರನ್ನು |

ಗುರುತಿಸಿ, ಪ್ರತಿಯೊಂದು ಜಿಲ್ಲೆಗೆ ಪ್ರತಿಯೊಂದು ವಲಯಕ್ಕೆ ಪ್ರಥಮ, ದ್ವಿತೀಯ ಹಾಗೂ ತೃತೀಯ ಪ್ರಶಸ್ತಿ ಮತ್ತು 8 ವಿಶೇಷ ಪುರಸ್ಕಾರ ಪ್ರಶಸ್ತಿಗಳು ಸೇರಿ ಒಟ್ಟು 3630 ಕಾರ್ಮಿಕರಿಗೆ "ಶ್ರಮ ಸಮ್ಮಾನ ಪ್ರಶಸ್ತಿ" ನೀಡಿ ಗೌರವಿಸಲಾಗುತ್ತಿದೆ.

1. **(ಅ)ಪ್ರಧಾನ ಮಂತ್ರಿ ಶ್ರಮಯೋಗಿ ಮಾನ್‌ಧನ್ ಯೋಜನೆ** (ಪಿಎಂ-ಎಸ್‌ವೈಎಂ):- ಕೇಂದ್ರ ಸರ್ಕಾರದ ಈ ಯೋಜನೆಯಡಿ 18-40 ವರ್ಷ ವಯೋಮಾನದ ಅಸಂಘಟಿತ ಕಾರ್ಮಿಕರು ನೊಂದಾಯಿಸಿಕೊಂಡು 60 ವರ್ಷ ಪೂರೈಸಿದ ನಂತರ ಮಾಸಿಕ ನಿಶ್ಚಿತ ರೂ.3,000/-ಗಳ ಪಿಂಚಣಿ ಸೌಲಭ್ಯ ಪಡೆಯಬಹುದಾಗಿದೆ. ಈ ಯೋಜನೆಯಡಿ ಫಲಾನುಭವಿಗಳಿಗೆ ಅವರ ವಯಸ್ಸಿನ ಆಧಾರದ ಮೇಲೆ ಮಾಸಿಕ ತಲಾ ರೂ. 55/- ರಿಂದ ರೂ. 200/- ರವರೆಗೆ ಕೇಂದ್ರ ಸರ್ಕಾರವು ಸಮಾನಾಂತರ ವಂತಿಕೆಯನ್ನು ಪಾವತಿಸುತ್ತದೆ.

(ಆ) **New Pension Scheme For Traders And Self Employed Persons;**

ಕೇಂದ್ರ ಸರ್ಕಾರದ ಈ ಯೋಜನೆಯಡಿ 18 ರಿಂದ 40 ವರ್ಷ ವಯೋಮಾನದ ಅಂಗಡಿ ಮಾಲೀಕರು, ಚಿಲ್ಲರೆ ವ್ಯಾಪಾರಿಗಳು, ಅಕ್ಕಿ ಗಿರಣಿ ಮಾಲೀಕರು, ಎಣ್ಣೆ ಗಿರಣಿ ಮಾಲೀಕರು, ವರ್ಕ್‌ಶಾಪ್ ಮಾಲೀಕರು, ಕಮಿಷನ್ ಏಜೆಂಟ್ಸ್, ರಿಯಲ್ ಎಸ್ಟೇಟ್‌ನ ಬ್ರೋಕರ್ಸ್, ಸಣ್ಣ ಹೋಟೆಲ್ ಹಾಗೂ ರೆಸ್ಟೋರೆಂಟ್‌ನ ಮಾಲೀಕರು ಹಾಗೂ ಅಂತಹ ಇತರೆ ಸಣ್ಣ ವ್ಯಾಪಾರಗಳಲ್ಲಿ ತೊಡಗಿಸಿಕೊಂಡ ವ್ಯಾಪಾರಿಗಳು/ಲಘು ವ್ಯಾಪಾರಿಗಳು ಹಾಗೂ ಸ್ವಯಂ ಉದ್ಯೋಗಿಗಳು ನೊಂದಾಯಿಸಿಕೊಂಡು 60 ವರ್ಷ ಪೂರೈಸಿದ ನಂತರ ಮಾಸಿಕ ನಿಶ್ಚಿತ ರೂ.3,000/- ಗಳ ಪಿಂಚಣಿ ಸೌಲಭ್ಯ ಪಡೆಯಬಹುದಾಗಿದೆ. ಈ ಯೋಜನೆಯಡಿ ಫಲಾನುಭವಿಗಳಿಗೆ ಅವರ ವಯಸ್ಸಿನ ಆಧಾರದ ಮೇಲೆ ಮಾಸಿಕ ತಲಾ ರೂ. 55/- ರಿಂದ ರೂ. 200/- ರವರೆಗೆ ಕೇಂದ್ರ ಸರ್ಕಾರವು ಸಮಾನಾಂತರ ವಂತಿಕೆಯನ್ನು ಪಾವತಿಸುತ್ತದೆ.

3. **ಕಾರ್ಮಿಕ ಕಲ್ಯಾಣ ಮಂಡಳಿ:-**

ಕಾರ್ಮಿಕ ಇಲಾಖೆಯ ಅಧೀನದಲ್ಲಿರುವ ಕರ್ನಾಟಕ ಕಾರ್ಮಿಕ ಕಲ್ಯಾಣ ಮಂಡಳಿಯಲ್ಲಿ ಕಾರ್ಮಿಕ ಕಲ್ಯಾಣಕ್ಕಾಗಿ ವರ್ಷಕ್ಕೆ ಒಂದು ಬಾರಿ 20:40ರ ಅನುಪಾತದಲ್ಲಿ ವಂತಿಗೆ ಪಾವತಿ ಮಾಡುವ ವಿವಿಧ ಸಂಸ್ಥೆಗಳಲ್ಲಿ ಕೆಲಸ

| | | |
|---|---|---|
| | | ನಿರ್ವಹಿಸುತ್ತಿರುವ ಸಂಘಟಿತ ಕಾರ್ಮಿಕರು ಹಾಗೂ ಕುಟುಂಬದ ಅವಲಂಬಿತರಿಗಾಗಿ ಕಲ್ಯಾಣ ಯೋಜನೆಯಡಿ ಈ ಕೆಳಕಂಡ ಸೌಲಭ್ಯಗಳನ್ನು ನೀಡಲಾಗುತ್ತಿದೆ.<br>1) ಕಾರ್ಮಿಕರ ಮಕ್ಕಳಿಗೆ ಶೈಕ್ಷಣಿಕ ಪ್ರೋತ್ಸಾಹ ಧನ ಸಹಾಯ<br>2) ಕಾರ್ಮಿಕರಿಗೆ ವೈದ್ಯಕೀಯ ನೆರವು<br>3) ಕಾರ್ಮಿಕರಿಗೆ ಅಪಘಾತ ಧನ ಸಹಾಯ<br>4) ಹೆರಿಗೆ ಭತ್ಯೆ ಸೌಲಭ್ಯ<br>5) ಮೃತ ಕಾರ್ಮಿಕನ ಅಂತ್ಯ ಸಂಸ್ಕಾರಕ್ಕೆ ಧನ ಸಹಾಯ<br>6) ವಾರ್ಷಿಕ ವೈದ್ಯಕೀಯ ತಪಾಸಣೆ ಶಿಬಿರ ಹಮ್ಮಿಕೊಳ್ಳುವ ಟ್ರೇಡ್ ಯೂನಿಯನ್/ಸಂಸ್ಥೆಗಳಿಗೆ ಧನಸಹಾಯ<br>ವಾರ್ಷಿಕ ಕ್ರೀಡಾ ಕೂಟ ಹಮ್ಮಿಕೊಳ್ಳುವ ನೊಂದಾಯಿತ ಕಾರ್ಮಿಕ ಸಂಘಗಳಿಗೆ ಧನಸಹಾಯ |
| ಆ) | ಸರ್ಕಾರವು ಯಾವ ಯಾವ ರೀತಿಯ ಕಾರ್ಮಿಕರನ್ನು ಗುರುತಿಸಿದೆ: ಹಾಸನ ಜಿಲ್ಲೆಯಲ್ಲಿ ಇಂತಹ ಎಷ್ಟು ಕಾರ್ಮಿಕರಿದ್ದಾರೆ: ಈ ಕಾರ್ಮಿಕರನ್ನು ಗುರುತಿಸಿ ಅವರಿಗಾಗಿ ಸರ್ಕಾರವು ರೂಪಿಸಿರುವ ಯೋಜನೆಗಳನ್ನು ತಲುಪಿಸಲು ಅನುಸರಿಸುತ್ತಿರುವ ಕ್ರಮಗಳೇನು: (ವಿವರ ನೀಡುವುದು) | 1. <u>ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿ:-</u><br>ಕಟ್ಟಡ ಮತ್ತು ಇತರೆ ನಿರ್ಮಾಣ ಕಾಮಗಾರಿಗಳಲ್ಲಿ ಕೆಲಸ ನಿರ್ವಹಿಸುತ್ತಿರುವ ಕಾಮೀಕರು ಸಹ ಅಸಂಘಟಿತ ವಲಯಕ್ಕೆ ಸೇರಿರುತ್ತಾರೆ. ಇಂತಹ ಕ್ಷೇತ್ರದ 53 ವರ್ಗದ ಕಾರ್ಮಿಕರನ್ನು ನಿಯಾಮಾನುಸಾರ ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಯಲ್ಲಿ ಫಲಾನುಭವಿಗಳಾಗಿ ನೋಂದಾಯಿಸಲಾಗುತ್ತಿದ್ದು, ದಿನಾಂಕ: 31-07-2021 ರವರೆಗೆ ಹಾಸನ ಜಿಲ್ಲೆಯಲ್ಲಿ 66,995 ಲಕ್ಷ ಕಾರ್ಮಿಕರು ಮಂಡಳಿಯ ಫಲಾನುಭವಿಗಳಾಗಿ ನೋಂದಾಯಿಸಲಾಗಿರುತ್ತದೆ.<br>ಮಂಡಳಿಯ 19 ವಿವಿಧ ರೀತಿಯ ಕಲ್ಯಾಣ ಮತ್ತು ಸಾಮಾಜಿಕ ಭದ್ರತಾ ಸೌಲಭ್ಯಗಳು ಸಮರ್ಪಕವಾಗಿ ತಲುಪಿಸಲು ಈ ಕೆಳಕಂಡ ಕ್ರಮಗಳನ್ನು ಅನುಸರಿಸಲಾಗುತ್ತಿದೆ:<br>• ಮಂಡಳಿಯಿಂದ ಅರ್ಹ ನೋಂದಾಯಿತ ಕಟ್ಟಡ ಕಾರ್ಮಿಕರಿಗೆ ಇರುವ ವಿವಿಧ ಸೌಲಭ್ಯಗಳನ್ನು ತುರ್ತಾಗಿ ಅನುಮೋದಿಸಿ ನಿಗಧಿತ ಅವಧಿಯೊಳಗೆ ಅವರ ವ್ಯಾಪ್ತಿಯಲ್ಲೇ ಸಹಾಯಧನವನ್ನು ಪಡೆಯಲು ಸಂಬಂಧಿಸಿದ ಎಲ್ಲಾ ಸಹಾಯಕ ಕಾರ್ಮಿಕ ಆಯುಕ್ತರಿಗೆ ಮತ್ತು ಕಾರ್ಮಿಕ ಅಧಿಕಾರಿಗಳಿಗೆ ಮಂಜೂರಾತಿ ಅಧಿಕಾರವನ್ನು ವಿಕೇಂದ್ರಿಕರಿಸಲಾಗಿದೆ.<br>• ಬ್ಯಾಂಕ್‌ನಿಂದ ಪ್ರತಿ ದಿನ ಫಲಾನುಭವಿಗಳಿಗೆ ನೆಫ್ಟ್ / ಆರ್.ಟಿ.ಜಿ.ಎಸ್ ಮೂಲಕ ಸಹಾಯಧನವನ್ನು ವರ್ಗಾಯಿಸಲಾಗುತ್ತಿದೆ. ಈ ರೀತಿ ಖಾತೆಗೆ ಸಹಾಯಧನವು ಜಮೆಯಾದ ಪ್ರಕರಣಗಳಲ್ಲಿ |

| | | |
|---|---|---|
| | | ಯಶಸ್ವಿಗೊಂಡ ಫಲಾನುಭವಿಗಳ ವಿವರ ಮತ್ತು ಯಶಸ್ವಿಯಾಗದೇ ಇರುವ ಫಲಾನುಭವಿಗಳ ವಿವರಗಳನ್ನು ಸಹಾಯಕ ಕಾರ್ಮಿಕ ಆಯುಕ್ತರು ಮತ್ತು ಕಾರ್ಮಿಕ ಅಧಿಕಾರಿಗಳಿಗೆ ಕಳುಹಿಸಲಾಗುತ್ತಿದೆ.<br>• ಸಕಾಲ / ಸೇವಾ ಸಿಂಧು/ ಕುಂದುಕೊರತೆ ಮೇಲ್ವಿಚಾರಣ ಪೋರ್ಟಲ್‌ನಲ್ಲಿ ಅರ್ಜಿಗಳನ್ನು ವಿಳಂಬ ಮಾಡದೇ ನಿಗಧಿತ ಸಮಯದೊಳಗೆ ಪರಿಶೀಲಿಸಿ ವಿಲೇಮಾಡಲು ಮಂಡಳಿವತಿಯಿಂದ ಕಾಲಕಾಲಕ್ಕೆ ಸೂಕ್ತ ನಿರ್ದೇಶನಗಳನ್ನು ಕ್ಷೇತ್ರಮಟ್ಟದ ಅಧಿಕಾರಿಗಳಿಗೆ ನೀಡಲಾಗಿರುತ್ತದೆ.<br>• ಕಾರ್ಮಿಕರಿಗೆ ಮಾಹಿತಿಯನ್ನು ನೀಡಲು 155214 ಸಹಾಯವಾಣಿ ತೆರೆಯಲಾಗಿದೆ.<br>ಪ್ರತಿ ತಾಲ್ಲೂಕಿನಲ್ಲೂ ಕಾರ್ಮಿಕ ಸೇವಾ ಕೇಂದ್ರಗಳನ್ನು ಕಾರ್ಮಿಕರ ಉಪಯೋಗಕ್ಕಾಗಿ ತೆರೆಯಲಾಗಿದೆ<br><br>2. **ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿ:-**<br><br>ಅಸಂಘಟಿತ ಕಾರ್ಮಿಕರ ಸಂಖ್ಯೆಗೆ ಸಂಬಂಧಿಸಿದಂತೆ ಈವರೆಗೆ ಕಾರ್ಮಿಕ ಇಲಾಖೆಯಿಂದ ಯಾವುದೇ ಸಮೀಕ್ಷೆ ನಡೆಸಿರುವುದಿಲ್ಲ. ಆದ್ದರಿಂದ ಅಸಂಘಟಿತ ಕಾರ್ಮಿಕರ ನಿಖರವಾದ ಅಂಕಿ ಅಂಶಗಳು ಲಭ್ಯವಿರುವುದಿಲ್ಲ.<br><br>ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿಯು ಜಾರಿಗೊಳಿಸುತ್ತಿರುವ ವಿವಿಧ ಯೋಜನೆಗಳಡಿ ನೋಂದಣಿಯಾಗಿರುವ ಅಸಂಘಟಿತ ಕಾರ್ಮಿಕರ ವಿವರ ಈ ಕೆಳಕಂಡಂತಿದೆ:<br><br>1. **ಕರ್ನಾಟಕ ರಾಜ್ಯ ಖಾಸಗಿ ವಾಣಿಜ್ಯ ಸಾರಿಗೆ ಕಾರ್ಮಿಕರ ಅಪಘಾತ ಪರಿಹಾರ ಯೋಜನೆ:-**<br>ಸಾರಿಗೆ ಇಲಾಖೆಯು ಒದಗಿಸಿರುವ ದತ್ತಾಂಶದ ಪ್ರಕಾರ ರಾಜ್ಯದಲ್ಲಿ ಊರ್ಜಿತ ಖಾಸಗಿ ವಾಣಿಜ್ಯ ಸಾರಿಗೆ ವಾಹನ ಚಾಲನಾ ಪರವಾನಗಿ ಹೊಂದಿರುವ 9,12,100 ಚಾಲಕರಿದ್ದು, ಅದರಲ್ಲಿ ಸರ್ಕಾರಿ ಕಛೇರಿಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಖಾಯಂ ಚಾಲಕರನ್ನು ಹೊರತುಪಡಿಸಿ ಉಳಿದ 8,40,561 ಚಾಲಕರನ್ನು ಈ ಯೋಜನೆಯಡಿ ಫಲಾನುಭವಿಗಳೆಂದು ಪರಿಗಣಿಸಲಾಗಿದೆ. ಸದರಿ ದತ್ತಾಂಶದನ್ವಯ ಹಾಸನ ಜಿಲ್ಲೆಯಲ್ಲಿ ಒಟ್ಟು **34001** ಚಾಲಕರನ್ನು ಈ ಯೋಜನೆಯಡಿ ಫಲಾನುಭವಿಗಳೆಂದು ಪರಿಗಣಿಸಲಾಗಿದೆ. |

| | | |
|---|---|---|
| | | **2. ಅಂಬೇಡ್ಕರ್ ಕಾರ್ಮಿಕ ಸಹಾಯ ಹಸ್ತ ಯೋಜನೆ:**<br>ಈ ಯೋಜನೆಯಡಿ ಹಾಸನ ಜಿಲ್ಲೆಯಲ್ಲಿ ಪ್ರಸ್ತುತ 11 ವರ್ಗಗಳ ಕಾರ್ಮಿಕರಾದ ಹಮಾಲರು, ಗೃಹಕಾರ್ಮಿಕರು, ಚಿಂದಿ ಆಯುವವರು, ಟೈಲರ್‌ಗಳು, ಮೆಕ್ಯಾನಿಕ್ಸ್, ಅಗಸರು, ಅಕ್ಕಸಾಲಿಗರು, ಕಮ್ಮಾರರು, ಕುಂಬಾರರು, ಕ್ಷೌರಿಕರು ಹಾಗೂ ಭಟ್ಟಿ ಕಾರ್ಮಿಕ ವೃತ್ತಿಯ 1425ಅಸಂಘಟಿತ ಕಾರ್ಮಿಕರನ್ನು ನೋಂದಾಯಿಸಲಾಗಿದೆ.<br><br>**3. ಕೋವಿಡ್-19ರ ವಿಶೇಷ ಪ್ಯಾಕೇಜ್:-**<br>ಕೋವಿಡ್-19ರ, 2020ನೇ ವರ್ಷದಲ್ಲಿ, ಮೊದಲನೇ ಅಲೆಯ ಲಾಕ್‌ಡೌನ್ ಕಾರಣ ಸಂಕಷ್ಟಕ್ಕೊಳಗಾದ ಅಗಸರು ಮತ್ತು ಕ್ಷೌರಿಕರ ವೃತ್ತಿ ಕಾರ್ಮಿಕರಿಗೆ ಸನ್ಮಾನ್ಯ ಮುಖ್ಯಮಂತ್ರಿಯವರು ಘೋಷಿಸಿದ ವಿಶೇಷ ಪ್ಯಾಕೇಜ್ ಅಡಿ ಒಂದು ಬಾರಿಯ ರೂ.5000/-ಗಳ ನೆರವನ್ನು ಕೋರಿ ಹಾಸನ ಜಿಲ್ಲೆಗೆ ಸಂಬಂಧಿಸಿದಂತೆ 3702 ಕಾರ್ಮಿಕರು ಅರ್ಜಿ ಸಲ್ಲಿಸಿರುತ್ತಾರೆ.<br><br>2021 ರಲ್ಲಿಕೋವಿಡ್-19 ರ2ನೇ ಅಲೆಯ ಲಾಕ್‌ಡೌನ್ ಕಾರಣ ಸಂಕಷ್ಟಕ್ಕೊಳಗಾದ ಅಸಂಘಟಿತ ವಲಯದ 11 ವರ್ಗಗಳಾದ "ಹಮಾಲರು, ಮನೆಗೆಲಸದವರು, ಚಿಂದಿ ಆಯುವವರು, ಟೈಲರ್ಸ್, ಮೆಕ್ಯಾನಿಕ್, ಅಗಸರು, ಅಕ್ಕಸಾಲಿಗರು, ಕಮ್ಮಾರರು, ಕುಂಬಾರರು, ಕ್ಷೌರಿಕರು ಹಾಗೂ ಭಟ್ಟಿ ಕಾರ್ಮಿಕ" ವೃತ್ತಿ ನಿರ್ವಹಿಸುತ್ತಿರುವ ಅಸಂಘಟಿತ ಕಾರ್ಮಿಕರಿಗೆ ಸನ್ಮಾನ್ಯ ಮುಖ್ಯಮಂತ್ರಿಯವರು ಘೋಷಿಸಿದ ವಿಶೇಷ ಪ್ಯಾಕೇಜ್ ಅಡಿ ಒಂದು ಬಾರಿಯ ರೂ.2000/- ಗಳ ನೆರವನ್ನು ಕೋರಿ ಸೇವಾ ಸಿಂಧು ಪೋರ್ಟಲ್ ಮೂಲಕ 14,52,943 ಕಾರ್ಮಿಕರು ಅರ್ಜಿ ಸಲ್ಲಿಸಿದ್ದು, ಹಾಸನ ಜಿಲ್ಲೆಗೆ ಸಂಬಂಧಿಸಿದಂತೆ 18587 ಕಾರ್ಮಿಕರು ಅರ್ಜಿ ಸಲ್ಲಿಸಿರುತ್ತಾರೆ. ತಾಲ್ಲೂಕುವಾರು ಮಾಹಿತಿ ಲಭ್ಯವಿರುವುದಿಲ್ಲ.<br><br>ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿಯ ವತಿಯಿಂದ ಜಾರಿಗೊಳಿಸುತ್ತಿರುವ ಯೋಜನೆಗಳ ಬಗ್ಗೆ ಸಾರ್ವಜನಿಕರಲ್ಲಿ ಅರಿವು ಮೂಡಿಸುವ ಸಲುವಾಗಿ ಈ ಕೆಳಕಂಡ ಕ್ರಮಗಳನ್ನು ಕೈಗೊಳ್ಳಲಾಗಿದೆ: |

| | | |
|---|---|---|
| | | ➢ ಕರಪತ್ರ, ದಿನ ಪತ್ರಿಕೆ, ಬ್ಯಾನರ್ಸ್, ಹಾಗೂ ಹೋರ್ಡಿಂಗ್ಸ್‌ಗಳ ಮೂಲಕ ಪ್ರಚಾರ ಕಾರ್ಯಕ್ರಮಗಳನ್ನು ಹಮ್ಮಿಕೊಳ್ಳಲಾಗುತ್ತಿದೆ.<br>➢ ಮಂಡಳಿ/ಸೊಸೈಟಿಗಳು ಜಾರಿಗೊಳಿಸುತ್ತಿರುವ ಯೋಜನೆಗಳ ಬಗ್ಗೆ ಮಾಹಿತಿ ಹಾಗೂ ನೋಂದಣಿ ಪ್ರಕ್ರಿಯೆಗಳ ವಿಧಾನಗಳ ಬಗ್ಗೆ ತಿಳಿಸುವ ಸಲುವಾಗಿ ಕಾರ್ಮಿಕ ಇಲಾಖೆಯ ಅಧಿಕಾರಿಗಳಿಗೆ ಜಿಲ್ಲಾಮಟ್ಟದಲ್ಲಿ ತರಬೇತಿ ಕಾರ್ಯಕ್ರಮವನ್ನು ಏರ್ಪಡಿಸಲಾಗಿದ್ದು, ಈ ಮೂಲಕ ಅಧಿಕಾರಿಗಳು ತಮ್ಮ ವ್ಯಾಪ್ತಿಯಲ್ಲಿ ಬರುವ ಕಾರ್ಮಿಕರಿಗೆ ಅರಿವು ಮೂಡಿಸಲು ನೆರವಾಗುವಂತೆ ಕ್ರಮ ಕೈಗೊಳ್ಳಲಾಗಿದೆ.<br>➢ ಕಾರ್ಮಿಕ ಇಲಾಖೆ ಹಾಗೂ ಅದರ ಅಧೀನದಲ್ಲಿ ಬರುವ ಮಂಡಳಿ ಹಾಗೂ ಸೊಸೈಟಿಗಳು ಜಾರಿಗೊಳಿಸುತ್ತಿರುವ ಯೋಜನೆಗಳ ಬಗ್ಗೆ ಮಾಹಿತಿಯನ್ನು ಕಾರ್ಮಿಕ ಸಹಾಯವಾಣಿ 155214 ಮೂಲಕ ನೀಡಲಾಗುತ್ತಿದೆ.<br>➢ ಕಾರ್ಮಿಕ ಇಲಾಖೆ ಹಾಗೂ ಇಲಾಖೆಯ ಅಧೀನದಲ್ಲಿ ಕಾರ್ಯನಿರ್ವಹಿಸುತ್ತಿರುವ ಮಂಡಳಿ/ಸೊಸೈಟಿಗಳು ಜಾರಿಗೊಳಿಸುತ್ತಿರುವ ಯೋಜನೆಗಳಡಿ ದೊರೆಯುವ ಸೌಲಭ್ಯಗಳ ಕುರಿತು ಮಾಹಿತಿ ನೀಡಲು, ಸೌಲಭ್ಯಗಳನ್ನು ಪಡೆಯಲು, ಅವಶ್ಯಕ ದಾಖಲೆಗಳನ್ನು ಸಂಗ್ರಹಿಸಲು ಮತ್ತು ಸಂಬಂಧಪಟ್ಟವರಿಗೆ ತಲುಪಿಸಿ ಸೌಲಭ್ಯಗಳನ್ನು ಪಡೆಯಲು ಅನುಕೂಲವಾಗುವಂತೆ ರಾಜ್ಯದ ಬಹುತೇಕ ಎಲ್ಲಾ ತಾಲ್ಲೂಕು ಕೇಂದ್ರಗಳಲ್ಲಿ ಕಾರ್ಮಿಕ ಸೇವಾ ಕೇಂದ್ರಗಳನ್ನು ತೆರೆಯಲಾಗಿದ್ದು, ಸದರಿ ಕೇಂದ್ರಗಳ ಮೂಲಕ ಕಾರ್ಮಿಕರಿಗೆ ಸೇವಾ ಸೌಲಭ್ಯಗಳನ್ನು ಒದಗಿಸಲಾಗುತ್ತಿದೆ.<br>ಕಾರ್ಮಿಕ ಇಲಾಖೆ ಹಾಗೂ ಅದರ ಅಧೀನದಲ್ಲಿ ಬರುವ ಮಂಡಳಿ/ಸೊಸೈಟಿಗಳು ಜಾರಿಗೊಳಿಸುತ್ತಿರುವ ಯೋಜನೆಗಳ ಕುರಿತಂತೆ ಕರ್ನಾಟಕ ಕಾನೂನು ಸೇವಾ ಪ್ರಾಧಿಕಾರದ ಜೊತೆಗೂಡಿ ಸಾರ್ವಜನಿಕರಲ್ಲಿ ಅರಿವು ಮೂಡಿಸಲಾಗುತ್ತಿದೆ.<br><br>3. **ಕರ್ನಾಟಕ ಕಾರ್ಮಿಕ ಕಲ್ಯಾಣ ಮಂಡಳಿ:-**<br>ಕರ್ನಾಟಕ ಕಾರ್ಮಿಕ ಕಲ್ಯಾಣ ಮಂಡಳಿಯು ವರ್ಷಕ್ಕೆ ಒಂದು ಬಾರಿ 20:40ರ ಅನುಪಾತದಲ್ಲಿ ವಂತಿಗೆ ಪಾವತಿ ಮಾಡುವ ವಿವಿಧ ಸಂಸ್ಥೆಗಳಲ್ಲಿ ಕೆಲಸ ನಿರ್ವಹಿಸುತ್ತಿರುವ ಸಂಘಟಿತ ಕಾರ್ಮಿಕರನ್ನು ಗುರುತಿಸಲಾಗಿದೆ. ಹಾಸನ ಜಿಲ್ಲೆಯಲ್ಲಿ ಒಟ್ಟು 22944 ಸಂಘಟಿತ ಕಾರ್ಮಿಕರು ಮಂಡಳಿಯ ವ್ಯಾಪ್ತಿಗೆ ಒಳಪಡುತ್ತಾರೆ. |

<table>
<tr><td></td><td></td><td>ಕಾರ್ಮಿಕ ಇಲಾಖೆಯ ಅಧೀನದಲ್ಲಿರುವ ಕಾರ್ಮಿಕ ಕಲ್ಯಾಣ ಮಂಡಳಿಯು ಸಂಘಟಿತ ಕಾರ್ಮಿಕ ವರ್ಗದವರಿಗಾಗಿ ಜಾರಿಗೊಳಿಸುತ್ತಿರುವ ವಿವಿಧ ಯೋಜನೆಗಳ ಮಾಹಿತಿಯನ್ನು ಕಾರ್ಮಿಕರಿಗೆ ತಲುಪುವಂತೆ ಮಾಡಲು ಹಾಗೂ ಫಲಾನುಭವಿಗಳು ಯೋಜನೆಗಳ ಸೌಲಭ್ಯಗಳನ್ನು ಸರಳ ರೀತಿಯಲ್ಲಿ ಪಡೆಯುವಂತಾಗಲು ಪತ್ರಿಕಾ ಪ್ರಕಟಣೆ, ಕರಪತ್ರಗಳ ವಿತರಣೆ, ಯೋಜನಾ ಸೌಲಭ್ಯಗಳ ಬ್ಯಾನರ್ ಪ್ರದರ್ಶನ ಹಾಗೂ ಆನ್‌ಲೈನ್ ವ್ಯವಸ್ಥೆಯನ್ನು ಮಂಡಳಿಯಿಂದ ರೂಪಿಸಲಾಗಿದೆ.</td></tr>
<tr><td>ಇ)</td><td>ಹಾಸನ ಜಿಲ್ಲೆಯಲ್ಲಿ ಯಾವ ಯಾವ ಕೈಗಾರಿಕೆ ಮತ್ತು ಉದ್ಯಮಗಳಲ್ಲಿ ಎಷ್ಟೆಷ್ಟು ಕಾರ್ಮಿಕರು ಕಾರ್ಯನಿರ್ವಹಿಸುತ್ತಿದ್ದಾರೆ: (ಕೈಗಾರಿಕೆವಾರು ವಿವರ ನೀಡುವುದು)</td><td>2020-21ನೇ ಸಾಲಿಗೆ ಕಾರ್ಮಿಕ ಕಲ್ಯಾಣ ಮಂಡಳಿಗೆ ವಂತಿಗೆ ಪಾವತಿಸಿದ 67 ಕಾರ್ಖಾನೆಗಳು ಮತ್ತು ಕಾರ್ಯ ಸಂಸ್ಥೆಗಳಲ್ಲಿ ಒಟ್ಟು 12317 ಸಂಘಟಿತ ಕಾರ್ಮಿಕರು ಹಾಸನ ಜಿಲ್ಲೆಯಲ್ಲಿ ಇರುತ್ತಾರೆ. ವಿವರಗಳು ಈ ಕೆಳಕಂಡಂತಿದೆ.
<table>
<tr><th>ಉದ್ಯಮ</th><th>ಸಂಖ್ಯೆ</th><th>ಕಾರ್ಮಿಕರು</th></tr>
<tr><td>ಗಾರ್ಮೆಂಟ್ಸ್</td><td>3</td><td>4327</td></tr>
<tr><td>ಕೆ.ಎಸ್.ಆರ್.ಟಿ.ಸಿ</td><td>3</td><td>955</td></tr>
<tr><td>ಕೆ.ಪಿ.ಟಿ.ಸಿ.ಎಲ್</td><td>7</td><td>727</td></tr>
<tr><td>ಪ್ಲಾಂಟೇಶನ್</td><td>22</td><td>2430</td></tr>
<tr><td>ಇತರೆ ಕಾರ್ಖಾನೆಗಳು</td><td>8</td><td>389</td></tr>
<tr><td>ಇತರೆ ಕಾರ್ಯಸಂಸ್ಥೆಗಳು</td><td>24</td><td>3489</td></tr>
<tr><td>ಮೊತ್ತ</td><td>67</td><td>12317</td></tr>
<tr><td></td><td></td><td></td></tr>
</table></td></tr>
<tr><td>ಈ)</td><td>ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯ ಕಾರ್ಮಿಕ ಇಲಾಖೆಗೆ ಸರ್ಕಾರದಿಂದ ಬಿಡುಗಡೆಯಾದ ಅನುದಾನವೆಷ್ಟು; ಈ ಅನುದಾನವನ್ನು ಯಾವ ಯಾವ ಉದ್ದೇಶಗಳಿಗಾಗಿ ಖರ್ಚು ಮಾಡಲಾಗಿದೆ? (ವಿವರ ನೀಡುವುದು)</td><td>1. <u>ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿ:-</u><br>ಮಂಡಳಿಗೆ ಸರ್ಕಾರದಿಂದ ಯಾವುದೇ ಅನುದಾನ ಬಿಡುಗಡೆಯಾಗಿರುವುದಿಲ್ಲ. ಕಟ್ಟಡ ಕಾಮಗಾರಿಗಳಿಂದ ಸ್ವೀಕೃತವಾಗುವ ಶೇ.1 ರಷ್ಟು ಸುಂಕ ಮೊತ್ತದಿಂದ ನೋಂದಾಯಿತ ಫಲಾನುಭವಿಗಳಿಗೆ ಕಲ್ಯಾಣ ಮತ್ತು ಸಾಮಾಜಿಕ ಭದ್ರತಾ ಸೌಲಭ್ಯಗಳನ್ನು ವಿತರಿಸಲಾಗುತ್ತಿದೆ.<br><br>2. <u>ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿ:-</u><br>ಹಾಸನ ಜಿಲ್ಲೆಗೆ ಸಂಬಂಧಿಸಿದಂತೆ ಯಾವುದೇ ಪ್ರತ್ಯೇಕ ಅನುದಾನ ಬಿಡುಗಡೆಯಾಗಿರುವುದಿಲ್ಲ ಆದರೆ ರಾಜ್ಯ ಸರ್ಕಾರವು ಕಳೆದ ಮೂರು ವರ್ಷಗಳ ಆಯವ್ಯಯಗಳಲ್ಲಿ ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿಯ ಯೋಜನೆಗಳಿಗೆ ಒದಗಿಸಿದ ಅನುದಾನ ಹಾಗೂ ಖರ್ಚಿನ ವಿವರವನ್ನು <u>ಅನುಬಂಧ-2 ರಲ್ಲಿ</u> ಲಗತ್ತಿಸಿದೆ.</td></tr>
</table>

3. **ಕರ್ನಾಟಕ ಕಾರ್ಮಿಕ ಕಲ್ಯಾಣ ಮಂಡಳಿ:-**

ಕರ್ನಾಟಕ ಕಾರ್ಮಿಕ ಕಲ್ಯಾಣ ಮಂಡಳಿಯಿಂದ ಜಿಲ್ಲಾವಾರು ಯಾವುದೇ ಅನುದಾನ ಬಿಡುಗಡೆಯಾಗಿರುವುದಿಲ್ಲ. ಆದರೆ ಮಂಡಳಿಗೆ ವಂತಿಗೆ ಪಾವತಿಸಿದ ಹಾಸನ ಜಿಲ್ಲೆಯ ಸಂಘಟಿತ ಕಾರ್ಮಿಕರಿಗೆ ಮತ್ತು ಅವರ ಕುಟುಂಬದ ಅವಲಂಬಿತರಿಗೆ ಕಲ್ಯಾಣ ಯೋಜನೆಗಳಡಿ ಕಳೆದ 3 ವರ್ಷಗಳಲ್ಲಿ ಸೌಲಭ್ಯಗಳನ್ನು ಒದಗಿಸಲಾಗಿದೆ. ವಿವರಗಳು ಈ ಕೆಳಕಂಡಂತಿದೆ

| ವರ್ಷ | ಫಲಾನುಭವಿಗಳು | ಮೊತ್ತ |
|---|---|---|
| 2018-19 | 474 | 19,98,000 |
| 2019-20 | 1215 | 47,09,000 |
| 2020-21 | 415 | 17,99,000 |

**ಕಾಇ 370 ಎಲ್ಇಟಿ 2021**

(ಅರಬೈಲ್ ಶಿವರಾಂ ಹೆಬ್ಬಾರ್)
ಕಾರ್ಮಿಕ ಸಚಿವರು

# ಅನುಬಂಧ-1

## ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿ

## ಮಂಡಳಿಯ ವತಿಯಿಂದ ನೋಂದಾಯಿತ ಫಲಾನುಭವಿಗಳಿಗೆ ಸಿಗುವ ಸೌಲಭ್ಯಗಳು

1. **ಪಿಂಚಣಿ ಸೌಲಭ್ಯ:** ಮೂರು ವರ್ಷ ಸದಸ್ಯತ್ವದೊಂದಿಗೆ 60 ವರ್ಷ ಪೂರೈಸಿದ ಫಲಾನುಭವಿಗೆಮಾಸಿಕ ರೂ.2,000/-
2. **ಕುಟುಂಬ ಪಿಂಚಣಿ ಸೌಲಭ್ಯ:** ಮೃತ ಪಿಂಚಣಿದಾರರ ಪತಿ / ಪತ್ನಿ ಮಾಸಿಕ ರೂ.1000/-
3. **ದುರ್ಬಲತೆ ಪಿಂಚಣಿ:** ನೋಂದಾಯಿತ ಫಲಾನುಭವಿಯು ಖಾಯಿಲೆಗಳಿಂದ ಅಥವಾಕಟ್ಟಡ ಕಾಮಗಾರಿಗಳ ಅಪಘಾತದಿಂದ ಶಾಶ್ವತ/ಭಾಗಶಃಅಂಗವಿಕಲತೆ ಹೊಂದಿದ್ದರೆ ಮಾಸಿಕ ರೂ.2,000/- ಪಿಂಚಣಿ ಹಾಗೂ ಶೇಕಡವಾರು ದುರ್ಬಲತೆಯನ್ನಾಧರಿಸಿ ರೂ.2,00,000/- ದವರೆಗೆಅನುಗ್ರಹ ರಾಶಿ ಸಹಾಯಧನ.
4. **ಕನ್ನಡಕ, ಶ್ರವಣಯಂತ್ರ, ಕೃತಕ ಕೈಕಾಲು ಮತ್ತು ಗಾಲಿ ಕುರ್ಚಿ** ಮರುಪಾವತಿ ಸೌಲಭ್ಯ( ಈ ಯೋಜನೆಯನ್ನು ಜಾರಿಗೊಳಿಸಲು ಕ್ರಮ ಕೈಗೊಳ್ಳಲಾಗುತ್ತಿದೆ)
5. **ಟ್ರೈನಿಂಗ್-ಕಮ್-ಟೂಲ್‌ಕಿಟ್‌ಸೌಲಭ್ಯ (ಶ್ರಮ ಸಾಮರ್ಥ್ಯ)** : ರೂ.30,000/- ವರೆಗೆ
6. **ಶ್ರಮ ಸಂಸಾರ ಸಾಮರ್ಥ್ಯತರಬೇತಿ ಸೌಲಭ್ಯ:** ನೋಂದಾಯಿತ ಫಲಾನುಭವಿಯಅವಲಂಬಿತರಿಗೆ( ಈ ಯೋಜನೆಯನ್ನು ಜಾರಿಗೊಳಿಸಲು ಕ್ರಮ ಕೈಗೊಳ್ಳಲಾಗುತ್ತಿದೆ)
7. **ವಸತಿ ಸೌಲಭ್ಯ (ಕಾರ್ಮಿಕ ಗೃಹ ಭಾಗ್ಯ):** ರೂ.2,00,000/- ದವರೆಗೆ ಮುಂಗಡ ಸೌಲಭ್ಯ
8. **ಹೆರಿಗೆ ಸೌಲಭ್ಯ (ತಾಯಿ ಲಕ್ಷ್ಮೀ ಬಾಂಡ್):** ಮಹಿಳಾ ಫಲಾನುಭವಿಯ ಮೊದಲ ಎರಡು ಮಕ್ಕಳಿಗೆ ಹೆಣ್ಣು ಮಗುವಿನ ಜನನಕ್ಕೆರೂ. 30,000/- ಮತ್ತುಗಂಡು ಮಗುವಿನ ಜನನಕ್ಕೆರೂ.20,000/-
9. **ಶಿಶು ಪಾಲನಾ ಸೌಲಭ್ಯ:**
10. **ಅಂತ್ಯಕ್ರಿಯೆ ವೆಚ್ಚ** : ರೂ.4,000/- ಹಾಗೂ ಅನುಗ್ರಹ ರಾಶಿ ರೂ.50,000/-ಸಹಾಯಧನ
11. **ಶೈಕ್ಷಣಿಕ ಸಹಾಯಧನ (ಕಲಿಕೆ ಭಾಗ್ಯ): ಫಲಾನುಭವಿಯಇಬ್ಬರು ಮಕ್ಕಳ ವಿದ್ಯಾಭ್ಯಾಸಕ್ಕಾಗಿ:**

| ಕ್ರ.ಸಂ | ತರಗತಿ (ಉತ್ತೀರ್ಣಕ್ಕೆ) | |
|---|---|---|
| 1 | ಕೆಜಿ/ ಪೂರ್ವ ಶಾಲೆ /ನರ್ಸರಿ(ವರ್ಷ 3 ರಿಂದ 5) | 5,000 |
| 2 | 1 ರಿಂದ 4ನೇ ತರಗತಿ | 5,000 |
| 3 | 5 ರಿಂದ 8ನೇ ತರಗತಿ | 8,000 |
| 4 | 9 ಹಾಗೂ 10ನೇ ತರಗತಿ | 12,000 |
| | ಪದವಿ ಪೂರ್ವ | |
| 5 | ಪ್ರಥಮ ಪಿಯುಸಿ ಮತ್ತು ದ್ವಿತೀಯ ಪಿ.ಯು.ಸಿ | 15,000 |
| 6 | ಪಾಲಿಟೆಕ್ನಿಕ್ / ಡಿಪ್ಲಮಾ/ ಐಟಿಐ | 20,000 |
| 7 | ಬಿಎಸ್‌ಸಿ ನರ್ಸಿಂಗ್/ ಜಿಎನ್‌ಎಮ್/ ಎಎನ್‌ಎಮ್/ ಪಾರಮೆಡಿಕಲ್ ಕೋರ್ಸ್ | 40,000 |
| 8 | ಡಿ.ಎಡ್ | 25,000 |

| | | |
|---|---|---|
| | ಬಿ.ಎಡ್ | 35,000 |
| 9 | ಪದವಿ ಪ್ರತಿ ವರ್ಷಕ್ಕೆ (ಯಾವುದೇ ಪದವಿ) | 25,000 |
| 10 | ಎಲ್‌ಎಲ್‌ಬಿ / ಎಲ್‌ಎಲ್‌ಎಮ್ | 30,000 |
| 11 | ಸ್ನಾತಕೋತ್ತರ ಪದವಿ ಸೇರ್ಪಡೆಗೆ | 35,000 ಗರಿಷ್ಠ 2 ವರ್ಷಅವಧಿಗೆ ಒಳಪಟ್ಟು |
| ತಾಂತ್ರೀಕ/ ವೈದ್ಯಕೀಯಎನ್‌ಇಇಟಿಅಥವಾ ಕೆಸಿಇಟಿ | | |
| 12 | ಬಿಇ / ಬಿ.ಟೆಕ್ ಅಥವಾ ಸಂಬಂಧಪಟ್ಟ ಯೂಜಿಕೋರ್ಸ್ | ಸದರಿ ಕೋರ್ಸ್‌ನ ಗರಿಷ್ಠ 2 ವರ್ಷ ಅವಧಿಗೆ ಒಳಪಟ್ಟು ವಾರ್ಷಿಕ ರೂ.50,000 |
| 13 | ಎಮ್.ಟೆಕ್/ ಎಮ್ ಇ ( ಇದಕ್ಕೆ ಸಂಬಂಧಪಟ್ಟ ಸಮಾನಾಂತರ ಸ್ನಾತಕ್ಕೊತ್ತರ ಕೋರ್ಸ್) | ಸದರಿ ಕೋರ್ಸ್‌ನ ಗರಿಷ್ಠ ಅವಧಿಗೆ ಒಳಪಟ್ಟು ವಾರ್ಷಿಕ ರೂ. 60,000 |
| 14 | ವೈದ್ಯಕೀಯ(ಎಮ್‌ಬಿಬಿಎಸ್ /ಬಿಎಎಮ್‌ಎಸ್ / ಬಿಡಿಎಸ್ /ಬಿಹೆಚ್‌ಎಮ್‌ಎಸ್ ಕೋರ್ಸ್‌ಗೆ ಅಥವಾ ಇದಕ್ಕೆ ಸಂಬಂಧಪಟ್ಟ ಸಮಾನಾಂತರ ಸ್ನಾತಕ್ಕೊತ್ತರ ಕೋರ್ಸ್ | ರೂ.60,000 (ಸದರಿ ಕೋರ್ಸ್‌ನ ಗರಿಷ್ಠ ಅವಧಿಗೆ ಒಳಪಟ್ಟು ) |
| | ಎಮ್‌ಡಿ | ರೂ. 75,000 (ಸದರಿ ಕೋರ್ಸ್‌ನ ಗರಿಷ್ಠ ಅವಧಿಗೆ ಒಳಪಟ್ಟು) |
| 15 | ಪಿಹೆಚ್‌ಡಿ/ ಎಮ್. ಫಿಲ್ (ಯಾವುದೇ ವಿಷಯ) | ಪಿಹೆಚ್‌ಡಿಗೆ ಗರಿಷ್ಠ ಮೂರು ವರ್ಷಗಳಿಗೆ ಹಾಗೂ ಎಮ್‌ಫಿಲ್‌ಗೆ 1 ವರ್ಷಕ್ಕೆ ಪ್ರತಿ ವರ್ಷ ರೂ. 25,000 (ಯೂಜಿಸಿಯ ಜೂನಿಯರ್ ರಿಸರ್ಚ್ ಫೆಲೋಶಿಫ್‌ಗೆ ಆಯ್ಕೆಯಾಗಿರುವ ಅಭ್ಯರ್ಥಿಗಳು ಕೇಂದ್ರ ಮತ್ತು ರಾಜ್ಯ ಸರ್ಕಾರದಲ್ಲಿ ಕೆಲಸ ನಿರ್ವಹಿಸುತ್ತಿರುವ ಅಭ್ಯರ್ಥಿಗಳು ಹಾ ಯೂಜಿಸಿ ನಿಯಮಗಳನ್ವಯ ವೇತನ ಅನುದಾನಕ್ಕೆ ಒಳಪಡುವ ಹುದ್ದೆಗಳಲ್ಲಿ ಅನುದಾನಿತ ಕಾಲೇಜುಗಳಲ್ಲಿ ಕೆಲಸ ನಿರ್ವಹಿಸುತ್ತಿರುವ ಅಭ್ಯರ್ಥಿಗಳು ಈ ಸೌಲಭ್ಯವನ್ನು ಪಡೆಯಲು ಅರ್ಹರಿರುವುದಿಲ್ಲ. |
| 16 | ಐಐಟಿ/ಐಐಐಟಿ/ ಐಐಎಮ್/ ಎನ್‌ಐಟಿ/ ಐಐಎಸ್‌ಇಆರ್/ ಎಐಐಎಮ್‌ಎಸ್ /ಎನ್‌ಎಲ್‌ಯೂ ಮತ್ತು ಭಾರತ ಸರ್ಕಾರದ ಮಾನ್ಯತೆ ಪಡೆದ ಕೋರ್ಸ್‌ಗಳು | ಪಾವತಿಸಿದ ಬೋದನಾ ಶುಲ್ಕ |

12. ವೈದ್ಯಕೀಯ ಸಹಾಯಧನ (ಕಾರ್ಮಿಕಆರೋಗ್ಯ ಭಾಗ್ಯ): ನೋಂದಾಯಿತ ಫಲಾನುಭವಿ ಹಾಗೂ ಅವರಅವಲಂಭಿತರಿಗೆರೂ.300/- ರಿಂದರೂ.10,000/-ವರೆಗೆ

13. ಅಪಘಾತ ಪರಿಹಾರ: ಮರಣ ಹೊಂದಿದ್ದಲ್ಲಿರೂ.5,00,000/-, ಸಂಪೂರ್ಣ ಶಾಶ್ವತದುರ್ಬಲತೆಯಾದಲ್ಲಿ ರೂ.2,00,000/- ಮತ್ತುಭಾಗಶಃ ಶಾಶ್ವತದುರ್ಬಲತೆಯಾದಲ್ಲಿ ರೂ.1,00,000/-

14. ಪ್ರಮುಖ ವೈದ್ಯಕೀಯ ವೆಚ್ಚ ಸಹಾಯಧನ (ಕಾರ್ಮಿಕಚಿಕಿತ್ಸಾ ಭಾಗ್ಯ): ಹೃದ್ರೋಗ, ಕಿಡ್ನಿಜೋಡಣೆ, ಕ್ಯಾನ್ಸರ್ ಶಸ್ತ್ರಚಿಕಿತ್ಸೆ, ಕಣ್ಣಿನ ಶಸ್ತ್ರಚಿಕಿತ್ಸೆ, ಪಾರ್ಶ್ವವಾಯು, ಮೂಳೆ ಶಸ್ತ್ರಚಿಕಿತ್ಸೆ, ಗರ್ಭಕೋಶ ಶಸ್ತ್ರಚಿಕಿತ್ಸೆ, ಅಸ್ತಮ ಚಿಕಿತ್ಸೆ, ಗರ್ಭಪಾತ ಪ್ರಕರಣಗಳು, ಪಿತ್ತಕೋಶದತೊಂದರೆಗೆ ಸಂಬಂಧಿತಚಿಕಿತ್ಸೆ, ಮೂತ್ರ ಪಿಂಡದಲ್ಲಿನಕಲ್ಲುತೆಗೆಯುವಚಿಕಿತ್ಸೆ, ಮೆದುಳಿನ ರಕ್ತಸ್ರಾವದಚಿಕಿತ್ಸೆ, ಅಲ್ಸರ್‌ಚಿಕಿತ್ಸೆ, ಡಯಾಲಿಸಿಸ್ ಚಿಕಿತ್ಸೆ, ಕಿಡ್ನಿ ಶಸ್ತ್ರಚಿಕಿತ್ಸೆ, ಇ.ಎನ್.ಟಿ. ಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ನರರೋಗ ಶಸ್ತ್ರಚಿಕಿತ್ಸೆ, ವ್ಯಾಸ್ಕ್ಯೂಲರ್ ಶಸ್ತ್ರಚಿಕಿತ್ಸೆ, ಅನ್ನನಾಳದ ಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ಕರುಳಿನ ಶಸ್ತ್ರಚಿಕಿತ್ಸೆ, ಸ್ತನ ಸಂಬಂಧಿತಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ಹರ್ನಿಯ ಶಸ್ತ್ರಚಿಕಿತ್ಸೆ, ಅಪೆಂಡಿಕ್ಸ್ ಶಸ್ತ್ರಚಿಕಿತ್ಸೆ, ಮೂಳೆ ಮುರಿತ/ಡಿಸ್‌ಲೊಕೇಶನ್‌ಚಿಕಿತ್ಸೆ, ಇತರೆಔದ್ಯೋಗಿಕ ಖಾಯಿಲೆಗಳ ಚಿಕಿತ್ಸೆಗಳಿಗೆ ರೂ.2,00,000/-ವರೆಗೆ

15. ಮದುವೆ ಸಹಾಯಧನ (ಗೃಹ ಲಕ್ಷ್ಮೀ ಬಾಂಡ್): ಫಲಾನುಭವಿ ಅಥವಾಅವರಇಬ್ಬರು ಮಕ್ಕಳ ಮದುವೆಗೆತಲಾ ರೂ.50,000/-

16. LPG ಸಂಪರ್ಕ ಸೌಲಭ್ಯ (ಕಾರ್ಮಿಕ ಅನಿಲ ಭಾಗ್ಯ): ಅನಿಲ ಸಂಪರ್ಕದೊಂದಿಗೆಎರಡು ಬರ್ನರ್ ಸ್ಟೌವ್

17. ಬಿಎಂಟಿಸಿ ಬಸ್ ಪಾಸ್ ಸೌಲಭ್ಯ: ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಕೆಲಸ ಮಾಡುತ್ತಿರುವಂತಹ / ವಾಸಸ್ಥಳದಿಂದ ಬೆಂಗಳೂರಿಗೆ ಪ್ರಯಾಣಿಸುವ ನೋಂದಾಯಿತಕಟ್ಟಡಕಾರ್ಮಿಕರಿಗೆ

18. ಕೆಎಸ್‌ಆರ್‌ಟಿಸಿ ಬಸ್ ಪಾಸ್‌ನ ಸೌಲಭ್ಯ: ರಾಜ್ಯದಾದ್ಯಂತ ವಿದ್ಯಾಭ್ಯಾಸದಲ್ಲಿತೊಡಗಿರುವ ನೋಂದಾಯಿತಕಾರ್ಮಿಕರಇಬ್ಬರು ಮಕ್ಕಳಿಗೆ (ಈ ಯೋಜನೆಯನ್ನು ಜಾರಿಗೊಳಿಸಲು ಕ್ರಮ ಕೈಗೊಳ್ಳಲಾಗುತ್ತಿದೆ)

19. ತಾಯಿ ಮಗು ಸಹಾಯ ಹಸ್ತ: ಮಹಿಳಾ ಫಲಾನುಭವಿಯು ಮಗುವಿಗೆ ಜನ್ಮ ನೀಡಿದ ಸಂದರ್ಭದಲ್ಲಿಆಕೆಯ ಮಗುವಿನ ಶಾಲಾ ಪೂರ್ವ ಶಿಕ್ಷಣ ಮತ್ತು ಪೌಷ್ಟಿಕತೆಗಾಗಿ ಮಗುವಿಗೆ ಮೂರು ವರ್ಷಗಳು ತುಂಬುವವರೆಗೆ ವಾರ್ಷಿಕರೂ.6,000/- ಗಳ ಸಹಾಯಧನ.

# ಅನುಬಂಧ-2

## ಕರ್ನಾಟಕ ರಾಜ್ಯ ಅಸಂಘಟಿತ ಕಾರ್ಮಿಕರ ಸಾಮಾಜಿಕ ಭದ್ರತಾ ಮಂಡಳಿ

ರೂ ಲಕ್ಷಗಳಲ್ಲಿ)

| ಕ್ರ.ಸಂ | ಯೋಜನೆ | ವರ್ಷ | | | | | |
|---|---|---|---|---|---|---|---|
| | | 2018-19 | | 2019-20 | | 2020-21 | |
| | | ಬಿಡುಗಡೆಯಾದ ಅನುದಾನ | ಖರ್ಚು | ಬಿಡುಗಡೆಯಾದ ಅನುದಾನ | ಖರ್ಚು | ಬಿಡುಗಡೆಯಾದ ಅನುದಾನ | ಖರ್ಚು |
| 1 | ಕರ್ನಾಟಕ ರಾಜ್ಯ ಖಾಸಗಿ ವಾಣಿಜ್ಯ ಸಾರಿಗೆ ಕಾರ್ಮಿಕರ ಅಪಘಾತ ಪರಿಹಾರ ಯೋಜನೆ | 1312.50 | 497.38 | 499.50 | 667.88 | 1.00 | 1001.35 |
| 2 | ಅಂಬೇಡ್ಕರ್ ಕಾರ್ಮಿಕ ಸಹಾಯಹಸ್ತ ಯೋಜನೆ | 2083.35 | 638.51 | 901.50 | 616.41 | 0 | 2490.92 |